ಕರ್ನಾಟಕ ವಿಧಾನ ಪರಿಷತ್ತು

| | |
|---|---|
| ಚುಕ್ಕೆ ಗುರುತಿಲ್ಲದ ಪ್ರಶ್ನೆ ಸಂಖ್ಯೆ | 157 |
| ಮಾನ್ಯ ಸದಸ್ಯರ ಹೆಸರು | ಡಾ:ವೈ ಎ.ನಾರಾಯಣಸ್ವಾಮಿ (ಶಿಕ್ಷಕರ ಕ್ಷೇತ್ರ) |
| ಉತ್ತರಿಸಬೇಕಾದ ದಿನಾಂಕ | 02-03-2020 |
| ಉತ್ತರಿಸುವ ಸಚಿವರು | ಆರೋಗ್ಯ ಮತ್ತು ಕುಟುಂಬ ಕಲ್ಯಾಣ ಹಾಗೂ ಹಿಂದುಳಿದ ವರ್ಗಗಳ ಕಲ್ಯಾಣ ಸಚಿವರು |

| ಕ್ರ.ಸಂ. | ಪ್ರಶ್ನೆ | ಉತ್ತರ |
|---|---|---|
| ಅ | ರಾಜ್ಯದಲ್ಲಿ ಕೊರೋನ ವೈರಸ್ ಹರಡದಂತೆ ಯಾವ ಮುನ್ನೆಚ್ಚರಿಕೆ ಕ್ರಮಗಳನ್ನು ಕೈಗೊಳ್ಳಲಾಗಿದೆ | ರಾಜ್ಯದಲ್ಲಿ ಕೊರೋನಾ ವೈರಸ್ ಹರಡದಂತೆ ಕೊರೋನಾ ವೈರಸ್ ಸೋಂಕಿತ ದೇಶಗಳಿಂದ ಬರುವ ಎಲ್ಲಾ ಪ್ರಯಾಣಿಕರನ್ನು ಅಂತರರಾಷ್ಟ್ರೀಯ ವಿಮಾನ ನಿಲ್ದಾಣ ಮತ್ತು ಬಂದರುಗಳಲ್ಲಿ ತೀವ್ರ ತಪಾಸಣೆಗೆ ಒಳಪಡಿಸಲಾಗುತ್ತಿದೆ. |
| ಆ | ಹಾಗಿದ್ದಲ್ಲಿ, ಕೈಗೊಳ್ಳಲಾಗಿರುವ ಕ್ರಮಗಳ ವಿವರ ನೀಡುವುದು | **ಕೈಗೊಳ್ಳಲಾಗಿರುವ ಕ್ರಮಗಳು:-**<br>• ರಾಜ್ಯ ಸರ್ಕಾರದ ಮುಖ್ಯ ಕಾರ್ಯದರ್ಶಿಗಳು, ಪ್ರಧಾನ ಕಾರ್ಯದರ್ಶಿಗಳು ಆರೋಗ್ಯ ಮತ್ತು ಕುಟುಂಬ ಇಲಾಖೆ ಹಾಗೂ ಆರೋಗ್ಯ ಮತ್ತು ಕುಟುಂಬ ಇಲಾಖೆ ಸೇವೆಗಳ ಎಲ್ಲಾ ಅಧಿಕಾರಿಗಳ ಉನ್ನತ ಮಟ್ಟದ ಸಭೆ ಕರೆದು ತೆಗೆದುಕೊಳ್ಳಬಹುದಾದದ ಎಲ್ಲಾ ಕಾರ್ಯಗಳ ಬಗ್ಗೆ ಚರ್ಚಿಸಲಾಗಿದೆ.<br>• ಆರೋಗ್ಯ ಮತ್ತು ಕುಟುಂಬ ಇಲಾಖೆ ಸೇವೆಗಳ ಆಯುಕ್ತರು ಎಲ್ಲಾ ಜಿಲ್ಲಾಧಿಕಾರಿಗಳಿಗೆ ಪತ್ರ ಬರೆದು ಅಗತ್ಯ ಕ್ರಮಗಳನ್ನು ಕೈಗೊಳ್ಳಲು ತಿಳಿಸಿದ್ದಾರೆ.<br>• ಎಲ್ಲಾ ಜಿಲ್ಲಾಧಿಕಾರಿಗಳು ಜಿಲ್ಲಾ ಮಟ್ಟದಲ್ಲಿ ಸಭೆ ಕರೆದು ನೋವೆಲ್ ಕೊರೋನ ವೈರಸ್ ಬಗ್ಗೆ ಆರೋಗ್ಯ ಮತ್ತು ಕುಟುಂಬ ಕಲ್ಯಾಣ ಅಧಿಕಾರಿಗಳಿಗೆ ಅಗತ್ಯ ಎಲ್ಲಾ ಮಾಹಿತಿಗಳನ್ನು ನೀಡಿ ಮುನ್ನೆಚ್ಚರಿಕೆ ಕ್ರಮಗಳನ್ನು ಕೈಗೊಳ್ಳುವಂತೆ ಸೂಚಿಸಿದ್ದು, ಉಸ್ತುವಾರಿ ಮತ್ತು ಮೇಲ್ವಿಚಾರಣೆ ನಡೆಸುತ್ತಿದ್ದಾರೆ.<br>• ರಾಜ್ಯದಿಂದ ನಾವೆಲ್ ಕೊರೋನ ವೈರಸ್ ನಿಯಂತ್ರಣ ಮತ್ತು ತಡೆಗಟ್ಟುವಿಕೆಯ ಕ್ರಮಗಳನ್ನು ಅನುಸರಿಸಲು ಎಲ್ಲಾ ಜಿಲ್ಲಾ ಆರೋಗ್ಯ ಮತ್ತು ಕುಟುಂಬ ಕಲ್ಯಾಣ ಅಧಿಕಾರಿಗಳಿಗೆ ಮಾರ್ಗದರ್ಶಿ ಸುತ್ತೋಲೆ ಹೊರಡಿಸಲಾಗಿದೆ.<br>• ರಾಜ್ಯದ ಬಂದರು ಮತ್ತು ವಿಮಾನ ನಿಲ್ದಾಣಗಳಲ್ಲಿ ವೈದ್ಯಾಧಿಕಾರಿಗಳು ಮತ್ತು ಅರೆವೈದ್ಯಕೀಯ ಸಿಬ್ಬಂದಿಗಳನ್ನು ನಿಯೋಜಿಸಲಾಗಿದ್ದು, ನಿರಂತರ ಪ್ರಯಾಣಿಕರ ತಪಾಸಣೆಗಳನ್ನು ನಡೆಸಲಾಗುತ್ತಿದೆ. |

| | | |
|---|---|---|
| | | • ಅಂತರ ರಾಷ್ಟ್ರೀಯ ವಿಮಾನ ನಿಲ್ದಾಣಗಳಲ್ಲಿ 108 ಅಂಬುಲೆನ್ಸ್ ವಾಹನವನ್ನು ದಿನ ಪೂರ್ತಿ ನಿಯೋಜಿಸಿ ಸಂಶಯಾಸ್ಪದ ಪ್ರಯಾಣಿಕರನ್ನು ಕೂಡಲೇ ರಾಜೀವ್ ಗಾಂಧಿ ಆಸ್ಪತ್ರೆ ಇಲ್ಲಿಗೆ ರವಾನಿಸಿ ಕೂಡಲೇ ಚಿಕಿತ್ಸೆಗೆ ಒಳಪಡಿಸಲಾಗುತ್ತಿದೆ.<br>• ರಾಜ್ಯದಲ್ಲಿ ಕೊರೋನಾ ವೈರಸ್ ಶಂಕಿತರನ್ನು ಗುರುತಿಸಲು ಮತ್ತು ಸಂಶಯಾಸ್ಪದ ಪ್ರಯಾಣಿಕರಿಗೆ ಚಿಕಿತ್ಸೆ ನೀಡಲು ರಾಜ್ಯದಲ್ಲಿ ಒಟ್ಟು 50 ಆಸ್ಪತ್ರೆಗಳನ್ನು ಗುರುತಿಸಲಾಗಿದೆ.<br>• ಬೆಂಗಳೂರಿನಲ್ಲಿ ರಾಜೀವ್ ಗಾಂಧಿ ಎದೆರೋಗಗಳ ಎಸ್.ಡಿ.ಎಸ್. ಕ್ಷಯ ರೋಗ ಸಂಶೋಧನಾ ಕೇಂದ್ರ ಮತ್ತು ರಾಜೀವ್ ಗಾಂಧಿ ಎದೆ ರೋಗಗಳ ಸಂಸ್ಥೆ ಸಾರ್ವಜನಿಕ ಆಸ್ಪತ್ರೆ ಜಯನಗರ ಮತ್ತು ಸಾಂಕ್ರಾಮಿಕ ರೋಗಗಳ ಆಸ್ಪತ್ರೆ ಇಂದಿರಾನಗರ ಇಲ್ಲಿ ವಿಶೇಷ ವಾರ್ಡನ್ನು ತೆರೆಯಲಾಗಿದೆ.<br>• ಬೆಂಗಳೂರಿನ ಪ್ರತಿಷ್ಠಿತ 19 ಖಾಸಗಿ ಆಸ್ಪತ್ರೆಗಳಲ್ಲಿ ವಿಶೇಷ ವಾರ್ಡನ್ನು ತೆರೆಯಲಾಗಿದ್ದು, ಎಲ್ಲಾ ಖಾಸಗಿ ಆಸ್ಪತ್ರೆಯ ಮುಖ್ಯಸ್ಥರಿಗೆ ಅಗತ್ಯ ಸಲಹೆ ಸೂಚನೆ ಮತ್ತು ಮಾರ್ಗಸೂಚಿಗಳನ್ನು ನೀಡಲಾಗಿದೆ.<br>• ಸಂಶಯಾಸ್ಪದ ಪ್ರಯಾಣಿಕರ ತಪಾಸಣೆ ಮತ್ತು ಚಿಕಿತ್ಸೆ ನಿರ್ವಹಿಸುವ ವೈದ್ಯಾಧಿಕಾರಿಗಳಿಗೆ ಮತ್ತು ಅರೆವೈದ್ಯಕೀಯ ಸಿಬ್ಬಂದಿಗಳಿಗೆ ಸೂಕ್ತ ತರಬೇತಿ ನೀಡಲಾಗಿದೆ.<br>• ತುರ್ತು ಸಂದರ್ಭದಲ್ಲಿ ಸಂಶಯಾಸ್ಪದ ಪ್ರಯಾಣಿಕರಿಗೆ ಚಿಕಿತ್ಸೆ ನೀಡಲು ಅಗತ್ಯವಿರುವ ಔಷಧಿಗಳ ದಾಸ್ತಾನು ಎಲ್ಲಾ ಆರೋಗ್ಯ ಸಂಸ್ಥೆಗಳಲ್ಲಿ ಲಭ್ಯವಿದೆ. ಇನ್ನು ಅಗತ್ಯವಿದ್ದಲ್ಲಿ ಖರೀದಿಸಲು ರಾಷ್ಟ್ರೀಯ ಆರೋಗ್ಯ ಅಭಿಯಾನದಿಂದ ಅನುದಾನ ಬಿಡುಗಡೆ ಮಾಡಲಾಗಿದೆ.<br>• ಕನ್ನಡ ಮತ್ತು ಇಂಗ್ಲಿಷನಲ್ಲಿ ನಾವೆಲ್ ಕೊರೋನ ವೈರಸ್‌ನ ಬಗ್ಗೆ ದಿನ ಪತ್ರಿಕೆಗಳಲ್ಲಿ ಪ್ರಕಟಿಸಲಾಗಿದೆ. ದೂರದರ್ಶನ ಮತ್ತು ರೇಡಿಯೋಗಳಲ್ಲಿ ಮುಂಜಾಗ್ರತಾ ಕ್ರಮಗಳ ಬಗ್ಗೆ ಪ್ರಚಾರ ಮಾಡಲಾಗಿದೆ.<br>• ಹೆಚ್ಚಿನ ನೆರವಿಗಾಗಿ '104' "ಆರೋಗ್ಯ ಸಹಾಯವಾಣಿ" ಯಲ್ಲಿಯೂ ಮಾಹಿತಿ ಒದಗಿಸಲಾಗುತ್ತಿದೆ. |
| ಇ | ಸದರಿ ರೋಗವನ್ನು ನಿಯಂತ್ರಿಸಲು ನೀಡಲಾಗುತ್ತಿರುವ ಔಷಧಿಯು ಸಾಕಷ್ಟು ಪ್ರಮಾಣದಲ್ಲಿ ಲಭ್ಯವಿದೆಯೇ? | ನಾವೆಲ್ ಕೊರೋನ ವೈರಸ್‌ಗೆ ನಿರ್ದಿಷ್ಟ ಔಷಧ ಮತ್ತು ಲಸಿಕೆ ಲಭ್ಯವಿರುವುದಿಲ್ಲ. ರೋಗ ಲಕ್ಷಣಗಳನ್ನು ಆಧರಿಸಿ ಚಿಕಿತ್ಸೆ ನೀಡಲಾಗುತ್ತಿದೆ. ಈ ಚಿಕಿತ್ಸೆಗೆ ಬೇಕಾಗುವ ಔಷಧಗಳು ಸಾಕಷ್ಟು ಪ್ರಮಾಣದಲ್ಲಿ ಲಭ್ಯವಿದೆ. |

ಆಕುಕ 3 ಎಸ್‌ಎಂಎಂ 2020

(ಬಿ.ಶ್ರೀರಾಮುಲು)
ಆರೋಗ್ಯ ಮತ್ತು ಕುಟುಂಬ ಕಲ್ಯಾಣ ಹಾಗೂ
ಹಿಂದುಳಿದ ವರ್ಗಗಳ ಕಲ್ಯಾಣ ಸಚಿವರು